# ಕರ್ನಾಟಕ ವಿಧಾನಸಭೆ

(15ನೇ ವಿಧಾನಸಭೆ)
ಹತ್ತನೇ ಅಧಿವೇಶನ

## ಕಾರ್ಯಕಲಾಪಗಳ ಪಟ್ಟಿ

ಬುಧವಾರ, ದಿನಾಂಕ 15ನೇ ಸೆಪ್ಟೆಂಬರ್, 2021
(ಸಮಯ: ಬೆಳಿಗ್ಗೆ 11.00 ಗಂಟೆಗೆ)

----

## 1. ಪ್ರಶ್ನೋತ್ತರ

ಅ) ಸದನದಲ್ಲಿ ಉತ್ತರಿಸುವ ಪ್ರಶ್ನೆಗಳು : ಮೂರನೇ ಪಟ್ಟಿ

ಆ) ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆಗಳು : ಮೂರನೇ ಪಟ್ಟಿ

## 2. ಸಭೆಯ ಮುಂದಿಡಲಾಗುವ ಕಾಗದ ಪತ್ರಗಳು

**ಶ್ರೀ ಬಸವರಾಜ ಬೊಮ್ಮಾಯಿ (ಮುಖ್ಯಮಂತ್ರಿಗಳು) ಅವರು:–**

**1)** ಭಾರತ ಸಂವಿಧಾನದ 151(2)ನೇ ಅನುಚ್ಛೇದದ ಮೇರೆಗೆ, ಭಾರತದ ಲೆಕ್ಕನಿಯಂತ್ರಕರು ಮತ್ತು ಮಹಾಲೆಕ್ಕಪರಿಶೋಧಕರು ನೀಡಿರುವ ರಾಜ್ಯ ಸರ್ಕಾರದ ಹಣಕಾಸಿನ ವ್ಯವಹಾರಗಳ ಮೇಲೆ ನೀಡಿರುವ ಲೆಕ್ಕಪರಿಶೋಧನಾ ವರದಿಯನ್ನು (2021ನೇ ವರ್ಷದ ವರದಿ ಸಂಖ್ಯೆ:1) ಸಭೆಯ ಮುಂದಿಡುವುದು.

**2)** ಭಾರತ ಸಂವಿಧಾನದ 151(2)ನೇ ಅನುಚ್ಛೇದದ ಮೇರೆಗೆ, ಭಾರತದ ಲೆಕ್ಕನಿಯಂತ್ರಕರು ಮತ್ತು ಮಹಾಲೆಕ್ಕಪರಿಶೋಧಕರು ನೀಡಿರುವ ಬೆಂಗಳೂರು ನಗರ ಪ್ರದೇಶದಲ್ಲಿ ಮಳೆನೀರು ನಿರ್ವಹಣೆಯ ಮೇಲಿನ ಕಾರ್ಯನಿರ್ವಹಣಾ ಲೆಕ್ಕಪರಿಶೋಧನಾ ವರದಿಯನ್ನು (2021ನೇ ವರ್ಷದ ವರದಿ ಸಂಖ್ಯೆ:2) ಸಭೆಯ ಮುಂದಿಡುವುದು.

**... 2/ ..**

## 3. ವರದಿಯನ್ನೊಪ್ಪಿಸುವುದು

**ಶ್ರೀಮತಿ ಕೆ. ಪೂರ್ಣಿಮ** (ಅಧ್ಯಕ್ಷರು, ಮಹಿಳಾ ಮತ್ತು ಮಕ್ಕಳ ಕಲ್ಯಾಣ ಸಮಿತಿ) ಅವರು ಕರ್ನಾಟಕ ವಿಧಾನ ಮಂಡಲದ ಮಹಿಳಾ ಮತ್ತು ಮಕ್ಕಳ ಕಲ್ಯಾಣ ಸಮಿತಿ 2020–21ನೇ ಸಾಲಿನ 37ನೇ ವರದಿಯನ್ನೊಪ್ಪಿಸುವುದು.

## 4. ನಿಯಮ 69ರ ಮೇರೆಗೆ ಸಾರ್ವಜನಿಕ ಮಹತ್ವದ ಜರೂರು ವಿಷಯಗಳ ಬಗ್ಗೆ ಅಲ್ಪ ಕಾಲಾವಧಿ ಚರ್ಚೆ

1) **ಶ್ರೀಯುತರುಗಳಾದ ಸಿದ್ದರಾಮಯ್ಯ, ಡಿ.ಕೆ. ಶಿವಕುಮಾರ್, ಕೆ.ಆರ್. ರಮೇಶ್ ಕುಮಾರ್, ಹೆಚ್.ಕೆ. ಪಾಟೀಲ್, ಕೆ.ಜೆ. ಜಾರ್ಜ್, ಡಾ. ಅಜಯ್ ಧರ್ಮಸಿಂಗ್ ಹಾಗೂ ಇತರರು** – ವಿವಿಧ ಧಾನ್ಯಗಳ, ಅಡುಗೆ ಅನಿಲ, ಪೆಟ್ರೋಲ್, ಡೀಸೆಲ್, ಔಷಧಿ ಸೇರಿದಂತೆ ಇತರೆ ಜೀವನಾವಶ್ಯಕ ವಸ್ತುಗಳ ಬೆಲೆ ಏರಿಕೆಯಿಂದಾಗಿ ಜನರ ಬದುಕು ಶೋಚನೀಯವಾಗಿರುವ ಬಗ್ಗೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ಚರ್ಚೆ.

2) **ಶ್ರೀಯುತರುಗಳಾದ ಹೆಚ್.ಡಿ. ರೇವಣ್ಣ, ಹೆಚ್.ಡಿ. ಕುಮಾರ ಸ್ವಾಮಿ, ಸಿ.ಎನ್. ಬಾಲಕೃಷ್ಣ, ಸಿ.ಎಸ್. ಪುಟ್ಟರಾಜು ಹಾಗೂ ಕೆ.ಎಸ್. ಲಿಂಗೇಶ್** – ರಾಜ್ಯದಲ್ಲಿ ಪ್ರಗತಿ ಹಂತದಲ್ಲಿರುವ ವಿವಿಧ ಇಲಾಖೆಗಳ ಕಾಮಗಾರಿಗಳನ್ನು ಅನುಷ್ಠಾನಗೊಳಿಸಲು ಆದೇಶವನ್ನು ಹೊರಡಿಸುವ ಬಗ್ಗೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ಚರ್ಚೆ.

## 5. ಗಮನ ಸೆಳೆಯುವ ಸೂಚನೆಗಳು

1) **ಶ್ರೀ ಯಶವಂತರಾಯಗೌಡ ವಿಠ್ಠಲಗೌಡ ಪಾಟೀಲ್ ಅವರು** – ವಿಜಯಪುರ ಜಿಲ್ಲೆ ಇಂಡಿ ತಾಲ್ಲೂಕಿನ ಸಾರ್ವಜನಿಕ ಗ್ರಂಥಾಲಯಕ್ಕೆ ಸುಸಜ್ಜಿತವಾದ ಕಟ್ಟಡ ಹಾಗೂ ಮೂಲಭೂತ ಸೌಲಭ್ಯಗಳನ್ನು ಒದಗಿಸುವ ಬಗ್ಗೆ ಮಾನ್ಯ ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಹಾಗೂ ಸಕಾಲ ಸಚಿವರ ಗಮನ ಸೆಳೆಯುವುದು.

2) **ಶ್ರೀ ಡಿ.ಸಿ. ತಮ್ಮಣ್ಣ ಅವರು** – ಮಂಡ್ಯ ಜಿಲ್ಲೆ ಮದ್ದೂರು ಪಟ್ಟಣದಲ್ಲಿ ಬಿ.ಎಂ.ಐ.ಸಿ.ಪಿ. ಕಛೇರಿಯನ್ನು ಪ್ರಾರಂಭಿಸುವ ಬಗ್ಗೆ ಮಾನ್ಯ ನಗರಾಭಿವೃದ್ಧಿ ಸಚಿವರ ಗಮನ ಸೆಳೆಯುವುದು.

3) **ಶ್ರೀ ಎಲ್.ವಿ. ರವಿಸುಬ್ರಮಣ್ಯ ಅವರು** – ಬೆಂಗಳೂರಿನ ಬಸವನಗುಡಿ ವಿಧಾನಸಭಾ ಕ್ಷೇತ್ರದ ಕೆಂಪಾಂಬುದಿ ಕೆರೆಯನ್ನು ಒತ್ತುವರಿ ಮಾಡಿರುವುದನ್ನು ತೆರವುಗೊಳಿಸಿ ಕೆರೆಯನ್ನು ಸಂರಕ್ಷಿಸುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

... 3/ ..

4) **ಶ್ರೀ ಎಂ.ವೈ. ಪಾಟೀಲ್ ಅವರು** – ಅಫಜಲಪುರ ಪಟ್ಟಣದಲ್ಲಿರುವ ನ್ಯಾಯಾಲಯದ ಕಟ್ಟಡವು ಶಿಥಿಲಗೊಂಡಿರುವುದರಿಂದ ನೂತನ ನ್ಯಾಯಾಲಯ ಕಟ್ಟಡವನ್ನು ನಿರ್ಮಾಣ ಮಾಡುವ ಬಗ್ಗೆ ಮಾನ್ಯ ಸಣ್ಣ ನೀರಾವರಿ ಮತ್ತು ಕಾನೂನು, ಸಂಸದೀಯ ವ್ಯವಹಾರಗಳು ಮತ್ತು ಶಾಸನ ರಚನೆ ಸಚಿವರ ಗಮನ ಸೆಳೆಯುವುದು.

5) **ಶ್ರೀ ಡಿ.ಸಿ. ಗೌರಿಶಂಕರ್ ಅವರು** – ಕಂದಾಯ ಇಲಾಖೆಯಲ್ಲಿ ಪರಿಶಿಷ್ಟ ಜಾತಿ ಮತ್ತು ಪರಿಶಿಷ್ಟ ನೌಕರರು ಮೀಸಲಾತಿಯಿಂದ ವಂಚಿತರಾಗುವುದನ್ನು ತಡೆಗಟ್ಟಲು ದ್ವಿತೀಯ ದರ್ಜೆ ಸಹಾಯಕರು ಮತ್ತು ಗ್ರಾಮಲೆಕ್ಕಿಗರ ಸಂಯುಕ್ತ ಜೇಷ್ಠತಾ ಪಟ್ಟಿಯನ್ನು ತಿದ್ದುಪಡಿ ಮಾಡುವ ಕಾಯ್ದೆ/ನಿಯಮಗಳ ಪ್ರಕ್ರಿಯೆಯನ್ನು ತಡೆಹಿಡಿಯುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

6) **ಶ್ರೀ ಕೆ.ಜೆ. ಜಾರ್ಜ್ ಅವರು** – ಸರ್ವಜ್ಞನಗರ ವಿಧಾನಸಭಾ ಕ್ಷೇತ್ರ ವ್ಯಾಪ್ತಿಯಲ್ಲಿ ಬಿ.ಡಿ.ಎ. ಬಡಾವಣೆಗಳನ್ನು ನಿರ್ಮಿಸುವ ಉದ್ದೇಶಕ್ಕಾಗಿ ಭೂಸ್ವಾಧೀನಪಡಿಸಿಕೊಂಡಿರುವ ಜಮೀನುಗಳನ್ನು ನಿಯಮ ಬಾಹಿರವಾಗಿ ಭೂಸ್ವಾಧೀನದಿಂದ ಡಿನೋಟಿಫಿಕೇಷನ್ ಮಾಡಿರುವುದನ್ನು ರದ್ದುಪಡಿಸಲು ಕ್ರಮ ಕೈಗೊಳ್ಳುವ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

7) **ಶ್ರೀ ಡಿ.ಎಸ್. ಹೂಲಗೇರಿ ಅವರು** – ರಾಯಚೂರು ಜಿಲ್ಲೆಯ ಲಿಂಗಸುಗೂರು ವಿಧಾನಸಭಾ ಕ್ಷೇತ್ರ ವ್ಯಾಪ್ತಿಯಲ್ಲಿ ಹಾದುಹೋಗಿರುವ ವಿವಿಧ ರಾಜ್ಯ ಹೆದ್ದಾರಿಗಳನ್ನು ಅಭಿವೃದ್ಧಿಗೊಳಿಸುವ ಬಗ್ಗೆ ಮಾನ್ಯ ಲೋಕೋಪಯೋಗಿ ಸಚಿವರ ಗಮನ ಸೆಳೆಯುವುದು.

8) **ಶ್ರೀ ಜಿ. ಸೋಮಶೇಖರ್ ರೆಡ್ಡಿ ಅವರು** – ರಾಜ್ಯದ ಸರ್ಕಾರಿ ಪದವಿ ಪೂರ್ವ ಕಾಲೇಜುಗಳಲ್ಲಿ ಕರ್ತವ್ಯ ನಿರ್ವಹಿಸುತ್ತಿರುವ ಅತಿಥಿ ಉಪನ್ಯಾಸಕರುಗಳಿಗೆ ಸೇವಾ ಪ್ರಮಾಣ ಪತ್ರ, ಗುರುತಿನ ಚೀಟಿಯನ್ನು ನೀಡಿ, ಸೇವಾ ಭದ್ರತೆಯನ್ನು ಘೋಷಿಸಿ, ಗೌರವ ಧನವನ್ನು ಹೆಚ್ಚಿಸುವ ಬಗ್ಗೆ ಮಾನ್ಯ ಪ್ರಾಥಮಿಕ ಮತ್ತು ಪ್ರೌಢಶಿಕ್ಷಣ ಹಾಗೂ ಸಕಾಲ ಸಚಿವರ ಗಮನ ಸೆಳೆಯುವುದು.

9) **ಶ್ರೀ ಜೆ.ಎನ್. ಗಣೇಶ್ ಅವರು** – ಪರಿಶಿಷ್ಟ ಪಂಗಡಕ್ಕೆ ಮೀಸಲಾತಿಯನ್ನು ಘೋಷಣೆ ಮಾಡುವುದಕ್ಕೆ ಸಂಬಂಧಿಸಿದಂತೆ ನಿವೃತ್ತ ನ್ಯಾಯಮೂರ್ತಿ ನೇತೃತ್ವದ ತ್ರಿಸದಸ್ಯ ಸಮಿತಿ ರಚನೆ ಮಾಡಿರುವ ಬಗ್ಗೆ ಮಾನ್ಯ ಸಮಾಜ ಕಲ್ಯಾಣ ಹಾಗೂ ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರ ಗಮನ ಸೆಳೆಯುವುದು.

10) **ಡಾ. ಜಿ. ಪರಮೇಶ್ವರ ಅವರು** – ವಸಂತ ನರಸಾಪುರ ಕೈಗಾರಿಕಾ ಪ್ರದೇಶದಲ್ಲಿರುವ ಕೈಗಾರಿಕೆಗಳಿಗೆ ಕೆ.ಐ.ಎ.ಡಿ.ಬಿ.ಯು ಹೆಚ್ಚಿಸಿರುವ ಲೀಸ್ ಕಂ ಸೇಲ್ ಡೀಡ್ ಅಂತಿಮ ದರವನ್ನು ಸರ್ಕಾರದ ಆದೇಶದಂತೆ ನಿಗದಿಪಡಿಸುವ ಬಗ್ಗೆ ಮಾನ್ಯ ಬೃಹತ್ ಮತ್ತು ಮಧ್ಯಮ ಕೈಗಾರಿಕೆ ಸಚಿವರ ಗಮನ ಸೆಳೆಯುವುದು.

11) **ಡಾ. ಕೆ. ಅನ್ನದಾನಿ ಅವರು** – ರಾಜ್ಯದ ಟೋಲ್‌ಗಳಲ್ಲಿ ಗಣ್ಯ ವ್ಯಕ್ತಿಗಳು ಮತ್ತು ಅತೀ ಗಣ್ಯ ವ್ಯಕ್ತಿಗಳ ಸಂಚಾರಕ್ಕಾಗಿ ಪ್ರತ್ಯೇಕ ಪಥವನ್ನು (ವಿ.ಐ.ಪಿ. ಲೈನ್) ಗುರುತಿಸುವ ಬಗ್ಗೆ ಮಾನ್ಯ ಲೋಕೋಪಯೋಗಿ ಸಚಿವರ ಗಮನ ಸೆಳೆಯುವುದು.

12) **ಶ್ರೀ ಎಲ್.ಎನ್. ನಿಸರ್ಗ ನಾರಾಯಣಸ್ವಾಮಿ ಅವರು** – ರಾಜ್ಯದ ಪುರಸಭೆಗಳು ಜನಸಾಮಾನ್ಯರಲ್ಲಿ ವೈಜ್ಞಾನಿಕ ಮನೋಭಾವನೆಯನ್ನು ರೂಪಿಸುವ ಯೋಜನೆಗಳನ್ನು ಅನುಷ್ಠಾನಗೊಳಿಸುವ ಬಗ್ಗೆ ಮಾನ್ಯ ಪೌರಾಡಳಿತ, ಸಣ್ಣ ಕೈಗಾರಿಕೆಗಳು ಹಾಗೂ ಸಾರ್ವಜನಿಕ ವಲಯ ಉದ್ಯಮಗಳ ಸಚಿವರ ಗಮನ ಸೆಳೆಯುವುದು.

13) **ಶ್ರೀ ವೆಂಕಟರಾವ್ ನಾಡಗೌಡ ಅವರು** – ಪಶುಸಂಗೋಪನಾ ಇಲಾಖೆಯ ಜಂಟಿ ನಿರ್ದೇಶಕರ ಕಛೇರಿಯನ್ನು ಕಲಬುರಗಿಗೆ ವರ್ಗಾಯಿಸಲು ಮಾಡಿರುವ ಆದೇಶವನ್ನು ರದ್ದುಪಡಿಸಿ ರಾಯಚೂರಿನಲ್ಲಿಯೇ ಮುಂದುವರೆಸುವ ಬಗ್ಗೆ ಮಾನ್ಯ ಪಶುಸಂಗೋಪನಾ ಸಚಿವರ ಗಮನ ಸೆಳೆಯುವುದು.

14) **ಶ್ರೀ ರೂಪಕಲಾ ಎಂ. ಅವರು** – ಕೆ.ಜಿ.ಎಫ್. ಕ್ಷೇತ್ರದಲ್ಲಿ ಲೋಕೋಪಯೋಗಿ ಇಲಾಖೆಯ ರಸ್ತೆಯನ್ನು ರಾಷ್ಟ್ರೀಯ ಹೆದ್ದಾರಿ ಇಲಾಖೆಗೆ ಹಸ್ತಾಂತರಿಸಿ ಸಿ.ಆರ್.ಎಫ್. ಅನುದಾನದಡಿ ಅಭಿವೃದ್ಧಿಪಡಿಸುವ ಕಾಮಗಾರಿಯನ್ನು ಪ್ರಾರಂಭಿಸುವ ಬಗ್ಗೆ ಮಾನ್ಯ ಲೋಕೋಪಯೋಗಿ ಸಚಿವರ ಗಮನ ಸೆಳೆಯುವುದು.

15) **ಶ್ರೀ ಎನ್.ಎ. ಹ್ಯಾರಿಸ್ ಅವರು** – ಬೆಂಗಳೂರು ಅಂತರಾಷ್ಟ್ರೀಯ ವಿಮಾನ ನಿಲ್ದಾಣದಿಂದ ವಿದೇಶಗಳಿಗೆ ತೆರಳುವ ಪ್ರಯಾಣಿಕರಿಗೆ ಮಾಡಲಾಗುತ್ತಿರುವ RAT- Rapid Antigen Test ಮತ್ತು RT-PCR ಕೋವಿಡ್ ತಪಾಸಣಾ ಪರೀಕ್ಷೆಗೆ ರೂ.800/–ಗಳ ಏಕರೂಪ ಶುಲ್ಕವನ್ನು ನಿಗದಿಪಡಿಸುವ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

16) **ಶ್ರೀ ಕೆ.ಆರ್. ರಮೇಶ್ ಕುಮಾರ್ ಅವರು** – ಕೋಲಾರ ಮತ್ತು ಸುತ್ತಮುತ್ತಲಿನ ಪ್ರದೇಶಗಳಲ್ಲಿನ ಹೂ ಬೆಳೆಗಾರರ ಹಿತದೃಷ್ಟಿಯಿಂದ ಪ್ರತ್ಯೇಕ ಹೂ ಮಾರುಕಟ್ಟೆ ವ್ಯವಸ್ಥೆಯನ್ನು ಮಾಡುವ ಬಗ್ಗೆ ಮಾನ್ಯ ತೋಟಗಾರಿಕೆ ಹಾಗೂ ಯೋಜನೆ, ಕಾರ್ಯಕ್ರಮ ಸಂಯೋಜನೆ ಮತ್ತು ಸಾಂಖ್ಯಿಕ ಸಚಿವರ ಗಮನ ಸೆಳೆಯುವುದು.

17) **ಶ್ರೀ ಕೆ.ಎಂ. ಶಿವಲಿಂಗೇಗೌಡ ಅವರು** – ಸ್ಲಂ ಬೋರ್ಡ್ ಮತ್ತು Housing for all ಯೋಜನೆಯಡಿ ನಿರ್ಮಿಸುತ್ತಿರುವ ವಸತಿ ಮನೆಗಳ ಯೋಜನೆಗಳು ಕುಂಠಿತಗೊಂಡಿರುವ ಬಗ್ಗೆ ಮಾನ್ಯ ವಸತಿ ಹಾಗೂ ಮೂಲಸೌಲಭ್ಯ ಅಭಿವೃದ್ಧಿ ಸಚಿವರ ಗಮನ ಸೆಳೆಯುವುದು.

... 5/ ..

18) **ಶ್ರೀ ಪ್ರಿಯಾಂಕ ಖರ್ಗೆ ಅವರು** – ಚಿತ್ತಾಪುರ ಪುರಸಭೆ ವ್ಯಾಪ್ತಿಯಲ್ಲಿ ಬರುವ ಪರಿಶಿಷ್ಟ ಜಾತಿ ಮತ್ತು ಪರಿಶಿಷ್ಟ ಪಂಗಡಗಳ ಜನ ವಸತಿ ಪ್ರದೇಶಗಳಲ್ಲಿ ಮೂಲಭೂತ ಸೌಕರ್ಯಗಳನ್ನು ಅಭಿವೃದ್ಧಿ ಪಡಿಸುವ ಬಗ್ಗೆ ಮಾನ್ಯ ಸಮಾಜ ಕಲ್ಯಾಣ ಮತ್ತು ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರ ಗಮನ ಸೆಳೆಯುವುದು.

19) **ಶ್ರೀ ಎ.ಟಿ. ರಾಮಸ್ವಾಮಿ ಅವರು** – ಭಾರಿ ಪ್ರಮಾಣದ ಸರ್ಕಾರಿ ಜಮೀನುಗಳು ಸುಳ್ಳು ದಾಖಲೆಗಳ ಮೂಲಕ ಭೂಗಳ್ಳರ ಪಾಲಾಗುತ್ತಿರುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

20) **ಶ್ರೀ ಬಸನಗೌಡ ದದ್ದಲ್ ಅವರು** – ರಾಯಚೂರು ಮತ್ತು ಯಾದಗಿರಿ ಜಿಲ್ಲೆಗಳನ್ನು ಒಳಗೊಂಡಂತೆ ಕಾರ್ಯಾರಂಭಗೊಂಡಿರುವ ವಿಶ್ವವಿದ್ಯಾಲಯದಲ್ಲಿ ಬೋಧಕೇತರ ಸಿಬ್ಬಂದಿ ಹಾಗೂ ಮೂಲಭೂತ ಸೌಕರ್ಯ ಕೊರತೆಯ ಬಗ್ಗೆ ಮಾನ್ಯ ಉನ್ನತ ಶಿಕ್ಷಣ, ಮಾಹಿತಿ ತಂತ್ರಜ್ಞಾನ, ಜೈವಿಕ ತಂತ್ರಜ್ಞಾನ, ವಿಜ್ಞಾನ ಮತ್ತು ತಂತ್ರಜ್ಞಾನ ಹಾಗೂ ಕೌಶಲ್ಯಾಭಿವೃದ್ಧಿ ಸಚಿವರ ಗಮನ ಸೆಳೆಯುವುದು.

21) **ಶ್ರೀ ಕೃಷ್ಣ ಬೈರೇಗೌಡ, ಟಿ. ವೆಂಕಟರಮಣಯ್ಯ ಹಾಗೂ ಇತರರು** – ದೊಡ್ಡಬಳ್ಳಾಪುರ, ದೇವನಹಳ್ಳಿ, ಗೌರಿಬಿದನೂರು ತಾಲ್ಲೂಕುಗಳಲ್ಲಿನ ಕೆರೆಗಳಿಗೆ ನೀರು ತುಂಬಿಸುವ ವೃಷಭಾವತಿ ಕಣಿವೆ ಯೋಜನೆಯನ್ನು ಅನುಷ್ಠಾನಗೊಳಿಸುವ ಬಗ್ಗೆ ಮಾನ್ಯ ಸಣ್ಣ ನೀರಾವರಿ ಮತ್ತು ಕಾನೂನು, ಸಂಸದೀಯ ವ್ಯವಹಾರಗಳು ಮತ್ತು ಶಾಸನ ರಚನೆ ಸಚಿವರ ಗಮನ ಸೆಳೆಯುವುದು.

22) **ಶ್ರೀ ಕೆ.ಎಸ್. ಲಿಂಗೇಶ್ ಅವರು** – ಬೇಲೂರು ವಿಧಾನಸಭಾ ಕ್ಷೇತ್ರದ ಅರಸಿಕೆರೆ ತಾಲ್ಲೂಕಿನ ಜಾವಗಲ್‌ನಲ್ಲಿ ಹಾಲಿಯಿರುವ ಪ್ರಾಥಮಿಕ ಆರೋಗ್ಯ ಕೇಂದ್ರವನ್ನು ಮೇಲ್ದರ್ಜೆಗೇರಿಸುವ ಬಗ್ಗೆ ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ ವೈದ್ಯಕೀಯ ಶಿಕ್ಷಣ ಸಚಿವರ ಗಮನ ಸೆಳೆಯುವುದು.

**ಎಂ.ಕೆ. ವಿಶಾಲಾಕ್ಷಿ**
**ಕಾರ್ಯದರ್ಶಿ(ಪ್ರ)**

---

**ವಿಧಾನಸಭೆಯ ಕಾರ್ಯಕಲಾಪಗಳ ಪಟ್ಟಿಯನ್ನು ವೆಬ್‌ಸೈಟ್‌ನಲ್ಲಿಯೂ ಸಹ ಪಡೆದುಕೊಳ್ಳಬಹುದು.**
http://kla.kar.nic.in/assembly/lob/lob.htm